# ಕರ್ನಾಟಕ ವಿಧಾನ ಪರಿಷತ್ತು

**ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ** : 865

**ಮಾನ್ಯ ಸದಸ್ಯರ ಹೆಸರು** : ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

**ಉತ್ತರಿಸಬೇಕಾದ ದಿನಾಂಕ** : 20-09-2021

**ಉತ್ತರಿಸುವ ಸಚಿವರು** : ಪ್ರವಾಸೋದ್ಯಮ ಹಾಗೂ ಪರಿಸರ ಮತ್ತು ಜೀವಿ ಪರಿಸ್ಥಿತಿ ಸಚಿವರು

| ಕ್ರ.ಸಂ | ಪ್ರಶ್ನೆ | ಉತ್ತರ |
|---|---|---|
| ಅ) | ರಾಜ್ಯದಲ್ಲಿ ಪ್ರವಾಸೋದ್ಯಮವನ್ನು ಅಭಿವೃದ್ಧಿಪಡಿಸಲು ಕರ್ನಾಟಕ ಪ್ರವಾಸೋದ್ಯಮ ಟಾಸ್ಕ್‌ಫೋರ್ಸ್ ಸ್ಥಾಪಿಸಲಾಗಿದ್ದು, ಸದರಿ ಕಾರ್ಯಕ್ರಮದ ವಿವರ ನೀಡುವುದು; | ಸರ್ಕಾರದ ಆದೇಶ ಸಂಖ್ಯೆ: ಟಿಒಆರ್/92/ಟಿಡಿಪಿ/2019, ದಿ:21.08.2019 ರಲ್ಲಿ ರಾಜ್ಯದಲ್ಲಿ ಪ್ರವಾಸೋದ್ಯಮವನ್ನು ಅಭಿವೃದ್ಧಿಪಡಿಸಿ ರಾಷ್ಟ್ರೀಯ ಮತ್ತು ಅಂತರಾಷ್ಟ್ರೀಯ ಪ್ರವಾಸಿಗರು ಭೇಟಿ ನೀಡುವ ಸ್ಥಳಗಳಲ್ಲಿ ಕರ್ನಾಟಕವನ್ನು ಮೊದಲ 5ನೇ ಸ್ಥಾನಕ್ಕೆ ತರುವ ನಿಟ್ಟಿನಲ್ಲಿ ರಾಜ್ಯದಲ್ಲಿ ಪ್ರವಾಸೋದ್ಯಮ ಮತ್ತು ಸಾಂಸ್ಕೃತಿಕ ಅಭಿವೃದ್ಧಿಗೆ ಸಂಬಂಧಿಸಿದಂತೆ ಕೈಗೊಳ್ಳಬೇಕಾದ ಕ್ರಮಗಳ ಕುರಿತು ವಿಶ್ಲೇಷಣ ನಡೆಸಿ ಸರ್ಕಾರಕ್ಕೆ ವಿವರವಾದ ವರದಿಯನ್ನು ಸಲ್ಲಿಸಲು ಶ್ರೀಮತಿ ಸುಧಾಮೂರ್ತಿ, ಅಧ್ಯಕ್ಷರು, ಇನ್ಫೋಸಿಸ್ ಪ್ರತಿಷ್ಠಾನ (ರಿ) ಇವರ ಅಧ್ಯಕ್ಷತೆಯಲ್ಲಿ 15 ಜನ ಸದಸ್ಯರನ್ನೊಳಗೊಂಡ **"ಕರ್ನಾಟಕ ಪ್ರವಾಸೋದ್ಯಮ ಟಾಸ್ಕ್‌ಫೋರ್ಸ್"** ಅನ್ನು ರಚಿಸಿ ಆದೇಶ ಹೊರಡಿಸಲಾಗಿರುತ್ತದೆ.<br><br>ಸದರಿ ಟಾಸ್ಕ್‌ಫೋರ್ಸ್‌ಗೆ ಈ ಕೆಳಕಂಡ ಕಾರ್ಯಸೂಚಿಗಳನ್ನು ನಿಗಧಿಪಡಿಸಲಾಗಿರುತ್ತದೆ:<br>1. ರಾಜ್ಯದಲ್ಲಿರುವ ಪ್ರವಾಸಿ ತಾಣಗಳಲ್ಲಿ ಅಂತರಾಷ್ಟ್ರೀಯ ಮಟ್ಟದ ಮೂಲಭೂತ ಸೌಕರ್ಯಗಳನ್ನು ಒದಗಿಸುವ ಸಂಬಂಧ ಅಗತ್ಯ ಕ್ರಮಗಳ ಬಗ್ಗೆ ವಿಶ್ಲೇಷಿಸಿ, ಶಿಫಾರಸ್ಸು ಮಾಡುವುದು.<br>2. ರಾಜ್ಯದಲ್ಲಿರುವ ಹೆಚ್ಚಿನ ಪ್ರಚಾರವಿಲ್ಲದ ಪ್ರವಾಸಿ ತಾಣಗಳನ್ನು ಗುರುತಿಸಿ, ಅಂತರಾಷ್ಟ್ರೀಯ ಪ್ರವಾಸಿ ತಾಣವನ್ನಾಗಿ ಅಭಿವೃದ್ಧಿಪಡಿಸಲು ಮಾರ್ಗದರ್ಶನ ನೀಡುವುದು.<br>3. ರಾಜ್ಯದಲ್ಲಿರುವ ನೈಸರ್ಗಿಕ, ಸಾಂಸ್ಕೃತಿಕ ಮತ್ತು ಐತಿಹಾಸಿಕ ವಲಯಗಳಲ್ಲಿ ಪ್ರವಾಸೋದ್ಯಮದ ಹೆಚ್ಚು ಅಭಿವೃದ್ಧಿಯನ್ನು ಗಮನದಲ್ಲಿರಿಸಿ ಹಾಗೂ ಪ್ರದರ್ಶನ ನೀಡುವ ಮಾರ್ಗಗಳ ಬಗ್ಗೆ ಶಿಫಾರಸ್ಸು ಮಾಡುವುದು. |

| | | |
|---|---|---|
| | | 4. ಪ್ರವಾಸಿ ತಾಣಗಳಲ್ಲಿ ಮಾನವ ಸಂಪನ್ಮೂಲ ಹಾಗೂ ಕೌಶಲ್ಯವನ್ನು ಅಭಿವೃದ್ಧಿಗೊಳಿಸುವ ಬಗ್ಗೆ ವಿಶೇಷ ಶಿಫಾರಸ್ಸು ಮಾಡುವುದು.<br>5. ರಾಜ್ಯದ ಪ್ರಮುಖ ಹೆದ್ದಾರಿಗಳಲ್ಲಿ ಪ್ರವಾಸಿಗರಿಗೆ ರಸ್ತೆಬದಿ ಸೌಕರ್ಯ ಒದಗಿಸುವ ಬಗ್ಗೆ ಪರಿಶೀಲಿಸಿ, ಶಿಫಾರಸ್ಸು ಮಾಡುವುದು.<br>6. ರಾಜ್ಯದಲ್ಲಿ ಆಚರಿಸಬಹುದಾದ ಉತ್ಸವಗಳ ಬಗ್ಗೆ ವಿಶ್ಲೇಷಿಸಿ ಸಲಹೆ ನೀಡುವುದು.<br>7. ಪ್ರವಾಸೋದ್ಯಮ ವಲಯವನ್ನು ಅಭಿವೃದ್ಧಿ ಪಡಿಸಲು ಇತರೆ ಸಲಹೆ / ಶಿಫಾರಸ್ಸುಗಳನ್ನು ಮಾಡುವುದು. |
| ಆ) | ಈ ಯೋಜನೆಯಡಿಯಲ್ಲಿ ರಾಜ್ಯಕ್ಕೆ ಹೆಚ್ಚಿನ ಪ್ರವಾಸಿಗರನ್ನು ಆಕರ್ಷಿಸುವುದಕ್ಕೆ ತೆಗೆದುಕೊಂಡ ಕ್ರಮಗಳೇನು; | ಕರ್ನಾಟಕ ಪ್ರವಾಸೋದ್ಯಮ ಟಾಸ್ಕ್‌ಫೋರ್ಸ್ ಇದು ಯೋಜನೆಯಾಗಿರುವುದಿಲ್ಲ. ಸದರಿ ಟಾಸ್ಕ್‌ಫೋರ್ಸ್ ಪ್ರವಾಸೋದ್ಯಮ ಅಭಿವೃದ್ಧಿಗೆ ಸಂಬಂಧಿಸಿದಂತೆ ಸಲಹೆ / ಶಿಫಾರಸ್ಸುಗಳನ್ನೊಳಗೊಂಡ ವರದಿ ನೀಡಲು ಸರ್ಕಾರದಿಂದ ರಚಿಸಿರುವ ಒಂದು ಸಮಿತಿಯಾಗಿರುತ್ತದೆ.<br><br>ಕರ್ನಾಟಕ ಪ್ರವಾಸೋದ್ಯಮ ಟಾಸ್ಕ್‌ಫೋರ್ಸ್ ದಿನಾಂಕ: 09.09.2019, 25.10.2019 ಹಾಗೂ 24.08.2021 ಗಳಂದು ಪ್ರಾಥಮಿಕ ಸಭೆಗಳನ್ನು ನಡೆಸಿದ್ದು, ಸದರಿ ಟಾಸ್ಕ್‌ಫೋರ್ಸ್ ಅಂತಿಮವಾಗಿ ನೀಡುವ ವರದಿಯನ್ವಯ ಕ್ರಮ ವಹಿಸಲಾಗುತ್ತದೆ. |
| ಇ) | ರಾಜ್ಯದ ಪ್ರವಾಸೋದ್ಯಮದ ಸರ್ವತೋಮುಖ ಅಭಿವೃದ್ಧಿಗಾಗಿ ಎಷ್ಟು ಹಣವನ್ನು ಮೀಸಲಿಡಲಾಗಿದೆ; | 2021-22ನೇ ಸಾಲಿನ ಆಯವ್ಯಯದಲ್ಲಿ ಪ್ರವಾಸೋದ್ಯಮ ಇಲಾಖೆಗೆ ರೂ.182.13 ಕೋಟಿಗಳನ್ನು ಒದಗಿಸಲಾಗಿದೆ. |
| ಈ) | ಸದರಿ ಯೋಜನೆಯಡಿಯಲ್ಲಿ ಉತ್ತರ ಕರ್ನಾಟಕದ ಯಾವ ಯಾವ ಪ್ರವಾಸಿ ಕೇಂದ್ರಗಳನ್ನು ಅಭಿವೃದ್ಧಿ ಪಡಿಸಲಾಗುವುದು? | ಕರ್ನಾಟಕ ಪ್ರವಾಸೋದ್ಯಮ ಟಾಸ್ಕ್‌ಫೋರ್ಸ್ ಅಂತಿಮ ವರದಿ ಸಲ್ಲಿಸಿದ ನಂತರ, ಪರಿಶೀಲಿಸಿ, ಉತ್ತರ ಕರ್ನಾಟಕದ ಪ್ರವಾಸಿ ತಾಣಗಳನ್ನೂ ಒಳಗೊಂಡಂತೆ ಒಟ್ಟಾರೆ ರಾಜ್ಯದ ಪ್ರವಾಸಿ ತಾಣಗಳನ್ನು ಅಭಿವೃದ್ಧಿ ಪಡಿಸಲು ಕ್ರಮವಹಿಸಲಾಗುವುದು. |

TOR 205 TDV 2021

(ಆನಂದ್ ಸಿಂಗ್)
ಪ್ರವಾಸೋದ್ಯಮ ಹಾಗೂ
ಪರಿಸರ ಮತ್ತು ಜೀವಿಪರಿಸ್ಥಿತಿ ಸಚಿವರು